ಲಿಖಿತ ಮೂಲಕ ಉತ್ತರಿಸುವ



ಕರ್ನಾಟಕ ವಿಧಾನ ಪರಿಷತ್ತು
ನೂರ ನಲವತ್ತನೆಯ ಅಧಿವೇಶನ
ಬುಧವಾರ, ದಿನಾಂಕ : 11 ನೇ ಮಾರ್ಚ್, 2020

ಬಳ್ಳಾರಿ-ಗಂಗಾ ಕಲ್ಯಾಣ ಹಾಗೂ ಇತರೆ ಯೋಜನೆಗಳ ಅನುಷ್ಠಾನ

ಶ್ರೀ ಎಸ್.ಎಲ್. ಭೋಜೇಗೌಡ (ಶಿಕ್ಷಕರ ಕ್ಷೇತ್ರ) :-

577 (617) ಮಾನ್ಯ ಉಪ ಮುಖ್ಯಮಂತ್ರಿಗಳು ಹಾಗೂ ಲೋಕೋಪಯೋಗಿ ಮತ್ತು ಸಮಾಜ ಕಲ್ಯಾಣ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ:-

(ಅ) ಕಳೆದ 3 ವರ್ಷಗಳಲ್ಲಿ ಸ್ವಯಂ ಉದ್ಯೋಗ ಕೈಗೊಳ್ಳಲು ಹಾಗೂ ಗಂಗಾ ಕಲ್ಯಾಣ ಮತ್ತು ಇನ್ನಿತರೆ ಯೋಜನೆಗಳ ಅರ್ಜಿ ಸಲ್ಲಿಸಿರುವ ಒಟ್ಟು ಫಲಾನುಭವಿಗಳು ಎಷ್ಟು ; (ಜಿಲ್ಲಾವಾರು ಮಾಹಿತಿ ನೀಡುವುದು)

(ಆ) ಸೂಕ್ತ ಫಲಾನುಭವಿಗಳನ್ನು ಗುರುತಿಸಿ ಅವರುಗಳಿಗೆ ನಿಗಮದ ವತಿಯಿಂದ ಸಹಾಯಧನವನ್ನು ನೀಡಲಾಗಿದೆಯೇ ; ಇದರಲ್ಲಿ ಅಕ್ರಮ ಜರುಗದಂತೆ ಹಾಗೂ ಸೂಕ್ತ ಫಲಾನುಭವಿಗಳಿಗೆ ಅನ್ಯಾಯವಾಗದಂತೆ ಸರ್ಕಾರವು ಯಾವ ರೀತಿ ಕ್ರಮಗಳನ್ನು ಕೈಗೊಂಡಿದೆ ;

(ಇ) ಈ ನಿಟ್ಟಿನಲ್ಲಿ ಆಯಾ ಜಿಲ್ಲೆಯ ಅಧಿಕಾರಿಗಳು ಸೂಕ್ತ ಫಲಾನುಭವಿಗಳನ್ನು ಗುರುತಿಸುವಲ್ಲಿ ಸಫಲರಾಗಿದ್ದಾರೆಯೇ ; ಇವರುಗಳು ಮೇಲ್ವಿಚಾರಣೆ ವಹಿಸುವವರು ಯಾರು ?